ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಶುಕ್ರವಾರ, ದಿನಾಂಕ : 29 ನೇ ಜನವರಿ, 2021

ಗ್ರಾಮ ಪಂಚಾಯತ್ ವ್ಯಾಪ್ತಿಯಲ್ಲಿನ ಘನತ್ಯಾಜ್ಯ ನಿರ್ವಹಣೆ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

17 (52) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್‌ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ರಾಜ್ಯದಲ್ಲಿ ಗ್ರಾಮ ಪಂಚಾಯಿತಿಗಳ ವ್ಯಾಪ್ತಿಯಲ್ಲಿ ಘನತ್ಯಾಜ್ಯ ನಿರ್ವಹಣೆಯು ಒಂದು ದೊಡ್ಡ ಸಮಸ್ಯೆಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಕೇಂದ್ರ ಸರ್ಕಾರದಿಂದ ರಾಜ್ಯ ಸರ್ಕಾರಕ್ಕೆ ಗ್ರಾಮಗಳ ಘನತ್ಯಾಜ್ಯ ನಿರ್ವಹಣೆಗಾಗಿ ಬಿಡುಗಡೆಯಾದ ಹಣವೆಷ್ಟು;

(ಇ) ಕಳೆದ ವರ್ಷ ರಾಜ್ಯದ ಎಷ್ಟು ಗ್ರಾಮಗಳಲ್ಲಿ ಈ ಘನತ್ಯಾಜ್ಯ ಸಂಸ್ಕರಣಾ ಘಟಕ/ನಿರ್ವಹಣೆಯ ವ್ಯವಸ್ಥೆ ಮಾಡಲಾಗಿದೆ;

(ಈ) ಇನ್ನೂ ಎಷ್ಟು ಗ್ರಾಮಗಳಲ್ಲಿ ಘನತ್ಯಾಜ್ಯ ವಿಲೇವಾರಿ ಬಗ್ಗೆ ಕ್ರಮ ಕೈಗೊಳ್ಳಬೇಕಾಗಿದೆ;

(ಉ) ಮುಂಬರುವ ದಿನಗಳಲ್ಲಿ ಇದೊಂದು ವಿಶೇಷ ಅಭಿಯಾನದ (Special Drive) ರೂಪದಲ್ಲಿ ಪ್ರಧಾನ ಮಂತ್ರಿ ಸ್ವಚ್ಛ ಭಾರತ ಅಭಿಯಾನದ ಅಡಿಯಲ್ಲಿ ತೆಗೆದುಕೊಂಡು ಸಾಧನೆ ಮಾಡಲು ಇರುವ ಸಮಸ್ಯೆಗಳೇನು?